# ಕರ್ನಾಟಕ ವಿಧಾನ ಪರಿಷತ್ತು

ಸದಸ್ಯರ ಹೆಸರು : ಶ್ರೀ.ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)
ಚುಕ್ಕೆ ರಹಿತ ಪ್ರಶ್ನೆ ಸಂಖ್ಯೆ : 1449(1783)
ಉತ್ತರ ದಿನಾಂಕ : 19-03-2021

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಬೇಸಿಗೆಗೂ ಮುನ್ನವೇ ಗ್ರಾಮೀಣ ಪ್ರದೇಶಗಳಲ್ಲಿ ಕುಡಿಯುವ ನೀರಿಗೆ ಹಾಹಾಕಾರ ಆರಂಭವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಇಲ್ಲಿವರೆಗೆ ಬಂದಿರುವುದಿಲ್ಲ.<br><br>ಆದಾಗ್ಯೂ, ಮುಂಬರುವ ಬೇಸಿಗೆಯಲ್ಲಿ ರಾಜ್ಯದಲ್ಲಿ ಬರ ಪರಿಸ್ಥಿತಿ ಉದ್ಭವವಾದರೆ ಗ್ರಾಮೀಣ ಪ್ರದೇಶದ ಜನರಿಗೆ ಕುಡಿಯುವ ನೀರಿನ ವ್ಯವಸ್ಥೆಯನ್ನು ಕಲ್ಪಿಸುವ ನಿಟ್ಟಿನಲ್ಲಿ ಈ ಹಿಂದಿನ ವರ್ಷಗಳಂತೆ ಬರಪೀಡಿತ ತಾಲ್ಲೂಕುವಾರು ಆಧಾರದ ಮೇಲೆ ತುರ್ತಾಗಿ ಕುಡಿಯುವ ನೀರಿನ ಕಾಮಗಾರಿಗಳನ್ನು ಕೈಗೊಳ್ಳಲು 4215 ಲೆಕ್ಕಶೀರ್ಷಿಕೆಯಡಿ ತಾತ್ಕಾಲಿಕವಾಗಿ ರೂ.6840.00ಲಕ್ಷಗಳ ಅನುದಾನವನ್ನು ಹಂಚಿಕೆ ಮಾಡಲಾಗಿರುತ್ತದೆ. |
| ಆ) | ಬಂದಿದ್ದಲ್ಲಿ, ರಾಜ್ಯದಲ್ಲಿ ಜನರಿಗೆ ಕುಡಿಯುವ ನೀರು ಪೂರೈಸಲು ಸರ್ಕಾರ ತೆಗೆದುಕೊಂಡ ಮುನ್ನೆಚ್ಚರಿಕಾ ಕ್ರಮಗಳೇನು; (ವಿವರ ಒದಗಿಸುವುದು) | |
| ಇ) | ಬೆಳಗಾವಿ ಜಿಲ್ಲೆಯಲ್ಲಿ ಯಾವ ಯಾವ ಗ್ರಾಮೀಣ ಪ್ರದೇಶಗಳು ಕುಡಿಯುವ ನೀರಿನ ವ್ಯವಸ್ಥೆ ಇಲ್ಲದೆ ತೊಂದರೆ ಅನುಭವಿಸುತ್ತಿವೆ; ಅಲ್ಲಿ ಕುಡಿಯುವ ನೀರು ಸರಬರಾಜು ವ್ಯವಸ್ಥೆ ಮಾಡಲು ಏನೇನು ಕ್ರಮಗಳನ್ನು ಕೈಗೊಳ್ಳಲಾಗಿದೆ;(ಸಂಪೂರ್ಣ ವಿವರ ನೀಡುವುದು) | ಬೆಳಗಾವಿ ಜಿಲ್ಲೆಯ ಗ್ರಾಮೀಣ ಪ್ರದೇಶದಲ್ಲಿ ಕುಡಿಯುವ ನೀರಿನ ವ್ಯವಸ್ಥೆ ಲಭ್ಯವಿದ್ದು, ಯಾವುದೇ ತೊಂದರೆ ಆಗಿರುವುದಿಲ್ಲ. |
| ಈ) | ಗ್ರಾಮೀಣ ಕುಡಿಯುವ ನೀರು ಸರಬರಾಜು ವ್ಯವಸ್ಥೆಯ ಕಾಮಗಾರಿಗಳು ತೀರಾ ವಿಳಂಬವಾಗುತ್ತಿರಲು ಕಾರಣಗಳೇನು; (ವಿವರ ಒದಗಿಸುವುದು) | ಯೋಜನೆಗಳನ್ನು ಸಮರ್ಪಕವಾಗಿ ಅನುಷ್ಠಾನಗೊಳಿಸುವ ಉದ್ದೇಶದಿಂದ ಜಲಮೂಲದ ಸುಸ್ಥಿರತೆಯನ್ನು ಖಚಿತಪಡಿಸಿಕೊಂಡು ಹಾಗೂ ಅನುದಾನದ ಲಭ್ಯತೆಗನುಗುಣವಾಗಿ ಯೋಜನೆಗಳನ್ನು ಕೈಗೆತ್ತಿಕೊಳ್ಳಲಾಗುತ್ತಿದೆ. ಕೈಗೆತ್ತಿಕೊಳ್ಳಲಾದ ಕಾಮಗಾರಿಯನ್ನು ಟೆಂಡರ್ ಆಹ್ವಾನಿಸುವ ಮುಖಾಂತರ ಅನುಷ್ಠಾನಗೊಳಿಸಲು ಕ್ರಮವಹಿಸಲಾಗುತ್ತಿದೆ. |
| ಉ) | ಸದರಿ ಕಾಮಗಾರಿಗಳನ್ನು ತೀವ್ರಗತಿಯಲ್ಲಿ ಪ್ರಾರಂಭಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು; | ಒಂದು ವೇಳೆ ಆಹ್ವಾನಿಸಲಾದ ಟೆಂಡರ್‌ನಲ್ಲಿ ಗುತ್ತಿಗೆದಾರರು ಭಾಗವಹಿಸದೇ ಇದ್ದಲ್ಲಿ ಅಲ್ಪಾವಧಿ ಮರು ಟೆಂಡರ್‌ಗಳನ್ನು ಕರೆದು ಗುತ್ತಿಗೆದಾರರನ್ನು ಅಂತಿಮಗೊಳಿಸಲು ಕ್ರಮವಹಿಸಲಾಗುವುದು. |
| ಊ) | ಬೆಳಗಾವಿ ಜಿಲ್ಲೆ ಮಾಂಜರಿ ಮತ್ತು ಯಡೂರು ಗ್ರಾಮಗಳಿಗೆ ಕುಡಿಯುವ ನೀರು ಪೂರೈಸುವ ಯೋಜನೆಯ ಯಾವ ಹಂತದಲ್ಲಿದೆ; ಯಾವ ಕಾಲಮಿತಿಯೊಳಗೆ ಯೋಜನೆಯು ಪೂರ್ಣಗೊಂಡು ಗ್ರಾಮಗಳಿಗೆ ಕುಡಿಯುವ ನೀರು ಪೂರೈಸಲಾಗುವುದು?(ವಿವರ ಒದಗಿಸುವುದು) | ಬೆಳಗಾವಿ ಜಿಲ್ಲೆ ಚಿಕ್ಕೋಡಿ ವಿಭಾಗ ವ್ಯಾಪ್ತಿಯ ಚಿಕ್ಕೋಡಿ ತಾಲೂಕಿನ ಮಾಂಜರಿ ಮತ್ತು ಯಡೂರ ಗ್ರಾಮಗಳ ಬಹುಗ್ರಾಮ ಕುಡಿಯುವ ನೀರಿನ ಯೋಜನೆಗಳನ್ನು ಒಂದೇ ಯೋಜನೆಯಾಗಿ ಕೈಗೊಳ್ಳಲು ಪ್ರಸ್ತಾಪಿಸಿದ್ದು, ರೂ.995.00ಲಕ್ಷ (ಸಗಟು ನೀರು ಸರಬರಾಜು ಕಾಮಗಾರಿ) ಗಳ ಪ್ರಾಥಮಿಕ ಯೋಜನಾ ವರದಿಯನ್ನು ದಿನಾಂಕ:15.03.2021 ರಂದು ನಡೆದ ಎಸ್.ಟಿ.ಎ ಸಭೆಯಲ್ಲಿ ಮಂಡಿಸಿ, ಕೆಲವೊಂದು ತಾಂತ್ರಿಕ ಮಾರ್ಪಾಡುಗಳೊಂದಿಗೆ ಅನುಮೋದನೆ ಪಡೆಯಲಾಗಿರುತ್ತದೆ. ಇದರೊಂದಿಗೆ ಮಾಂಜರಿ ಗ್ರಾಮದ ಕಾರ್ಯಾತ್ಮಕ ನಳ ನೀರು ಸಂಪರ್ಕ ಕಾಮಗಾರಿಯ ಅಂದಾಜು ಪತ್ರಿಕೆಯನ್ನು ರೂ.370.00ಲಕ್ಷ ಹಾಗೂ ಯಡೂರ ಗ್ರಾಮದ ಕಾರ್ಯಾತ್ಮಕ ನಳ ನೀರು ಸಂಪರ್ಕ ಕಾಮಗಾರಿಯ ಅಂದಾಜು ಪತ್ರಿಕೆಯನ್ನು ರೂ.320.00ಲಕ್ಷಗಳಿಗೆ ತಯಾರಿಸಲಾಗಿದ್ದು, ಒಟ್ಟಾರೆಯಾಗಿ 2023ರೊಳಗಾಗಿ ಯೋಜನೆಯನ್ನು ಪೂರ್ಣಗೊಳಿಸಲು ಗುರಿ ಹೊಂದಲಾಗಿದೆ. |

ಸಂ:ಗ್ರಾಕುನೀ&ನೈಇ 105 ಗ್ರಾನೀಸ(4)2021

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು